<u>ಕರ್ನಾಟಕ ವಿಧಾನ ಪರಿಷತ್ತು</u>

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 960
ಉತ್ತರಿಸಬೇಕಾದ ದಿನಾಂಕ : 13.03.2020
ಸದಸ್ಯರ ಹೆಸರು : ಶ್ರೀ ರಘುನಾಥ್ ರಾವ್ ಮಲ್ಕಾಪೂರೆ (ವಿಧಾನಸಭೆಯಿಂದ ಚುನಾಯಿತರಾದವರು)
ಉತ್ತರಿಸುವ ಸಚಿವರು : ಮಾನ್ಯ ಪ್ರವಾಸೋದ್ಯಮ ಮತ್ತು ಕನ್ನಡ ಮತ್ತು ಸಂಸ್ಕೃತಿ ಹಾಗೂ ಯುವ ಸಬಲೀಕರಣ ಮತ್ತು ಕ್ರೀಡಾ ಸಚಿವರು

| ಕ್ರಸಂ | ಪ್ರಶ್ನೆ | ಉತ್ತರ |
|---|---|---|
| ಅ | ಬೀದರ್ ಜಿಲ್ಲೆ ಕ್ರೀಡಾಂಗಣದ ಕಾಮಗಾರಿಯನ್ನು ಯಾವಾಗ ಪ್ರಾರಂಭಿಸಲಾಗಿದೆ; ಕಾಮಗಾರಿ ಪೂರ್ಣಗೊಳ್ಳದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಹಾಗಿದ್ದಲ್ಲಿ, ಎಷ್ಟು ಸಮಯದಲ್ಲಿ ಪೂರ್ಣಗೊಳಿಸಲಾಗುವುದು; (ಮಾಹಿತಿ ನೀಡುವುದು) | ಬೀದರ್ ಜಿಲ್ಲೆಯ ನೆಹರೂ ಕ್ರೀಡಾಂಗಣದ ಪ್ರೇಕ್ಷಕರ ಗ್ಯಾಲರಿ ಶಿಥಿಲಗೊಂಡಿದ್ದ ಹಿನ್ನೆಲೆಯಲ್ಲಿ ಸದರಿ ಕ್ರೀಡಾಂಗಣವನ್ನು ಪುನರ್ ನಿರ್ಮಿಸುವ ಕಾಮಗಾರಿಯನ್ನು ಕಲ್ಯಾಣ-ಕರ್ನಾಟಕ ಪ್ರದೇಶಾಭಿವೃದ್ಧಿ ಮಂಡಳಿ ವತಿಯಿಂದ ಕೈಗೆತ್ತಿಕೊಳ್ಳಲಾಗಿದ್ದು, ಕಾಮಗಾರಿಯನ್ನು ದಿನಾಂಕ: 15-12-2017 ರಂದು ಪ್ರಾರಂಭಿಸಲಾಗಿದೆ.<br><br>ಬಂದಿದೆ. ಕಾಮಗಾರಿಯನ್ನು ದಿನಾಂಕ: 14-09-2019 ರಂದು ಪೂರ್ಣಗೊಳಿಸಬೇಕಾಗಿದ್ದು, ಪ್ರಸ್ತುತ ಕಾಮಗಾರಿ ಅಂತಿಮ ಹಂತದಲ್ಲಿದ್ದು, ಶೀಘ್ರ ಪೂರ್ಣಗೊಳಿಸಲಾಗುವುದು. |
| ಆ | ಯಾವ, ಯಾವ ಯೋಜನೆಯಡಿಯಲ್ಲಿ ಕ್ರೀಡಾಂಗಣದ ಕಾಮಗಾರಿಗೆ ಈವರೆಗೆ ಖರ್ಚು ಮಾಡಲಾದ ಅನುದಾನ ಎಷ್ಟು; ಪೂರ್ಣಗೊಳಿಸಲು ಎಷ್ಟು ಅನುದಾನದ ಅವಶ್ಯಕತೆಯಿದೆ; ಅವಶ್ಯಕತೆಯಿರುವ ಅನುದಾನವನ್ನು ಎಷ್ಟು ಸಮಯದಲ್ಲಿ ಒದಗಿಸಲಾಗುವುದು? (ವಿವರ ನೀಡುವುದು) | ಬೀದರ್ ಜಿಲ್ಲೆಯ ನೆಹರೂ ಜಿಲ್ಲಾ ಕ್ರೀಡಾಂಗಣ ನಿರ್ಮಾಣದ ಪುನರ್ ನಿರ್ಮಾಣ ಕಾಮಗಾರಿಯನ್ನು ಕಲ್ಯಾಣ-ಕರ್ನಾಟಕ ಪ್ರದೇಶಾಭಿವೃದ್ಧಿ ಮಂಡಳಿಯ MACRO Development Project Scheme ಅಡಿ ಕೈಗೆತ್ತಿಕೊಳ್ಳಲಾಗಿದೆ. ಕಾರ್ಯಾದೇಶದ ಮೊತ್ತ ರೂ 387.79 ಲಕ್ಷ ಆಗಿದ್ದು, ರೂ 373.29 ಲಕ್ಷ ಬಿಡುಗಡೆ ಮಾಡಲಾಗಿದೆ. ಕಾರ್ಯಾದೇಶ ನೀಡಿದ ಮೊತ್ತಕ್ಕೆ ಬಾಕಿ ಮೊತ್ತ ರೂ 14.50 ಲಕ್ಷ ಬಿಡುಗಡೆಯಾಗಬೇಕಾಗಿದೆ.<br><br>ಯುವ ಸಬಲೀಕರಣ ಮತ್ತು ಕ್ರೀಡಾ ಇಲಾಖೆಯ ರಾಜ್ಯ ವಲಯದ ಬಂಡವಾಳ ವೆಚ್ಚ ಕಾರ್ಯಕ್ರಮದಡಿ ರೂ 100.00 ಲಕ್ಷ ವೆಚ್ಚದಲ್ಲಿ ಹೆಚ್ಚುವರಿ ಪ್ರೇಕ್ಷಕರ ಗ್ಯಾಲರಿ ಹಾಗೂ ಇತರೆ ಕಾಮಗಾರಿಗಳನ್ನು ಕೈಗೆತ್ತಿಕೊಳ್ಳಲಾಗಿದ್ದು, ರೂ 75.00 ಲಕ್ಷಗಳನ್ನು ಕರ್ನಾಟಕ ರಾಜ್ಯ ಗ್ರಾಮೀಣ ಮೂಲ ಸೌಕರ್ಯ ಅಭಿವೃದ್ಧಿ ನಿಗಮ ನಿಯಮಿತ ಇವರಿಗೆ ಬಿಡುಗಡೆ ಮಾಡಲಾಗಿದೆ. |

ವೈಎಸ್ ಡಿ-/ಇಬಿಬಿ/39/2020

(ಸಿ. ಟಿ. ರವಿ)
ಪ್ರವಾಸೋದ್ಯಮ ಮತ್ತು ಕನ್ನಡ ಮತ್ತು ಸಂಸ್ಕೃತಿ
ಹಾಗೂ ಯುವ ಸಬಲೀಕರಣ ಮತ್ತು ಕ್ರೀಡಾ ಸಚಿವರು.